

# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 382
ಸದಸ್ಯರ ಹೆಸರು : ಶ್ರೀ ರಘುನಾಥ್ ರಾವ್ ಮಲ್ಕಾಪೂರೆ
ಉತ್ತರಿಸುವ ದಿನಾಂಕ : 15.12.2021

ಉತ್ತರಿಸುವ ಸಚಿವರು : ಸಾರಿಗೆ ಹಾಗೂ ಪರಿಶಿಷ್ಟ ಪಂಗಡಗಳ ಕಲ್ಯಾಣ ಸಚಿವರು

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ಬೀದರ್ ಜಿಲ್ಲೆಯಲ್ಲಿನ ಗೊಂಡ (ಎಸ್.ಟಿ.) ಸಮುದಾಯದ ವಿದ್ಯಾರ್ಥಿಗಳಿಗೆ ವಿದ್ಯಾಭ್ಯಾಸದ ಸಮಯದಲ್ಲಿ ಪರಿಶಿಷ್ಟ ಪಂಗಡ ಪ್ರಮಾಣ ಪತ್ರ ನೀಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; (ಮಾಹಿತಿ ನೀಡುವುದು) | ಹೌದು.<br>ಗೊಂಡ ಜಾತಿಯು ಪರಿಶಿಷ್ಟ ಪಂಗಡದ ಜಾತಿ ಪಟ್ಟಿಯಲ್ಲಿ ಸೇರ್ಪಡೆಗೊಂಡಿರುವುದರಿಂದ ಸದರಿಯವರಿಗೆ ಪರಿಶಿಷ್ಟ ಪಂಗಡದ ಜಾತಿ ಪ್ರಮಾಣ ಪತ್ರವನ್ನು ನೀಡಲಾಗುತ್ತಿದೆ. |
| ಆ) | ಬಂದಿದ್ದಲ್ಲಿ, ಆ ವಿದ್ಯಾರ್ಥಿಗಳು ಸರ್ಕಾರಿ ಸೇವೆಗೆ ಆಯ್ಕೆಯಾದ ಸಮಯದಲ್ಲಿ ಪರಿಶಿಷ್ಟ ಪಂಗಡದ ಸಿಂಧುತ್ವ ಪ್ರಮಾಣ ಪತ್ರ ನೀಡುವ ಸಮಯದಲ್ಲಿ ನೀಡದೇ ಅಧಿಕಾರಿಗಳು ಸಿ.ಆರ್.ಇ. ಸೇಲ್‌ಗೆ ಕಳುಹಿಸುತ್ತಿರುವುದರಿಂದ ಸರ್ಕಾರಿ ಉದ್ಯೋಗಕ್ಕಾಗಿ ಆಯ್ಕೆಯಾದ ಅಭ್ಯರ್ಥಿಗಳಿಗೆ ತುಂಬಾ ತೊಂದರೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಜಿಲ್ಲಾ ಜಾತಿ ಪರಿಶೀಲನಾ ಸಮಿತಿಯ ಅಧ್ಯಕ್ಷತೆಯಲ್ಲಿ ಜಾತಿ/ಸಿಂಧುತ್ವ ಪ್ರಮಾಣ ಪತ್ರಗಳನ್ನು ಸರ್ಕಾರಿ ಉದ್ಯೋಗಕ್ಕೆ ಆಯ್ಕೆಯಾದ ಅಭ್ಯರ್ಥಿಗಳಿಗೆ ನಿಯಮಾನುಸಾರ ವಿಚಾರಣೆ ನಡೆಸಿ ಜಾತಿ ಸಿಂಧುತ್ವ ಪ್ರಮಾಣ ಪತ್ರಗಳನ್ನು ನೀಡಲಾಗುತ್ತದೆ. ಜಾತಿ ಪ್ರಮಾಣ ಪತ್ರಗಳ ಬಗ್ಗೆ ಸಂದೇಹವಿದ್ದಲ್ಲಿ ನಾಗರೀಕ ಹಕ್ಕು ಜಾರಿ ನಿರ್ದೇಶನಾಲಯದ ವತಿಯಿಂದ ಸೂಕ್ತ ತನಿಖೆ ನಡೆಸಿ ವರದಿ ಪಡೆದು ಸಿಂಧುತ್ವ ಪ್ರಮಾಣ ಪತ್ರವನ್ನು ನೀಡಲು ಸರ್ಕಾರದಿಂದ ಸುತ್ತೋಲೆ ಮೂಲಕ ಸೂಚಿಸಲಾಗಿದೆ. ಸುಳ್ಳು ಜಾತಿ ಪ್ರಮಾಣ ಪತ್ರವನ್ನು ತಡೆಯುವ ಹಿನ್ನೆಲೆಯಲ್ಲಿ ಈ ಸೂಚನೆ ನೀಡಲಾಗಿರುತ್ತದೆ. |
| ಇ) | ಬಂದಿದ್ದಲ್ಲಿ, ಸಿಂಧುತ್ವ ಪ್ರಮಾಣ ಪತ್ರ ತುರ್ತಾಗಿ ನೀಡುವ ಬಗ್ಗೆ ಸರ್ಕಾರ ಕೈಗೊಂಡ ಕ್ರಮಗಳೇನು? (ಸಂಪೂರ್ಣ ಮಾಹಿತಿ ನೀಡುವುದು) | |

ಸಕಇ 280 ಎಸ್ ಎಡಿ 2021

(ಬಿ ಶ್ರೀರಾಮುಲು)
ಸಾರಿಗೆ ಹಾಗೂ ಪರಿಶಿಷ್ಟ ಪಂಗಡಗಳ
ಕಲ್ಯಾಣ ಸಚಿವರು